# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ | : | 248 (ನಗರಾಭಿವೃದ್ಧಿ ಇಲಾಖೆಯಿಂದ ವರ್ಗಾಯಿತ ಪ್ರಶ್ನೆ) |
| ಸದಸ್ಯರ ಹೆಸರು | : | ಶ್ರೀ ಬಿ.ಜಿ.ಪಾಟೀಲ್ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ) |
| ಉತ್ತರಿಸುವ ದಿನಾಂಕ | : | 02-02-2021. |
| ಉತ್ತರಿಸುವ ಸಚಿವರು | : | ಮಾನ್ಯ ಉಪಮುಖ್ಯಮಂತ್ರಿಗಳು,<br>ಲೋಕೋಪಯೋಗಿ ಇಲಾಖೆ |

| ಕ್ರ.ಸಂ. | ಪ್ರಶ್ನೆ | ಉತ್ತರ |
|---|---|---|
| ಅ) | ಕಲಬುರಗಿ ನಗರದ ಎರಡನೇ ರಿಂಗ್ ರಸ್ತೆ ನಿರ್ಮಾಣಕ್ಕಾಗಿ ಜಾಗವನ್ನು ಭೂಸ್ವಾಧೀನ ಪಡಿಸಿಕೊಳ್ಳಲಾಗಿದೆಯೇ; | ಕಲ್ಬುರ್ಗಿ ನಗರಕ್ಕೆ ರಿಂಗ್ ರಸ್ತೆ ನಿರ್ಮಾಣ ಕಾಮಗಾರಿಯನ್ನು ರಾಷ್ಟ್ರೀಯ ಹೆದ್ದಾರಿ ವಲಯದ ವತಿಯಿಂದ ಕೈಗೊಂಡಿರುವುದಿಲ್ಲ. ಆದರೆ ಬೈಪಾಸ್ ನಿರ್ಮಾಣಕ್ಕಾಗಿ ವಿಸ್ತೃತ ಯೋಜನಾ ವರದಿ ತಯಾರಿಸಿದ್ದು, ಭೂಸ್ವಾಧೀನಕ್ಕಾಗಿ ಸುಮಾರು ರೂ.300.00 ಕೋಟಿಗಳ ಅನುದಾನದ ಅವಶ್ಯಕತೆ ಇರುತ್ತದೆ. ಹಾಲಿ ಇರುವ ಕೇಂದ್ರ ಸರ್ಕಾರದ ನಿಯಮದಂತೆ ಶೇ.50ರಷ್ಟು ಭೂಸ್ವಾಧೀನದ ಮೊತ್ತವನ್ನು ರಾಜ್ಯ ಸರ್ಕಾರವು ಭರಿಸಬೇಕಿದೆ. ರಾಜ್ಯ ಸರ್ಕಾರದ ಅನುಮೋದನೆ ದೊರೆತಲ್ಲಿ, ಮುಂದಿನ ವಾರ್ಷಿಕ ಕ್ರಿಯಾ ಯೋಜನೆಯಲ್ಲಿ ಅಳವಡಿಸಿ ಕೇಂದ್ರ ಭೂಸಾರಿಗೆ ಮತ್ತು ಹೆದ್ದಾರಿಗಳ ಮಂತ್ರಾಲಯದಿಂದ ಅನುಮೋದನೆ ದೊರೆತ ನಂತರ ಭೂಸ್ವಾಧೀನ ಪ್ರಕ್ರಿಯೆ ಪ್ರಾರಂಭಿಸಲಾಗುವುದು. |
| ಆ) | ಭೂಸ್ವಾಧೀನ ಪಡಿಸಿಕೊಂಡಿದ್ದಲ್ಲಿ ಎಷ್ಟು ಜಾಗವನ್ನು ಭೂಸ್ವಾಧೀನ ಪಡಿಸಿಕೊಳ್ಳಲಾಗಿದೆ; (ವಿವರ ನೀಡುವುದು) | |
| ಇ) | ಸದರಿ ರಿಂಗ್ ರಸ್ತೆಗೆ ಕೇಂದ್ರ ಮತ್ತು ರಾಜ್ಯ ಸರ್ಕಾರದಿಂದ ಬಿಡುಗಡೆಯಾದ ಅನುದಾನ ಎಷ್ಟು? (ವಿವರ ನೀಡುವುದು) | |

ಕಡತ ಸಂಖ್ಯೆ: ಲೋಇ 22 ಸಿಎನ್‌ಹೆಚ್ 2021 (ಇ)

(ಗೋವಿಂದ.ಎಂ.ಕಾರಜೋಳ)
ಉಪ ಮುಖ್ಯಮಂತ್ರಿ
ಲೋಕೋಪಯೋಗಿ ಇಲಾಖೆ